# ಕರ್ನಾಟಕ ವಿಧಾನಸಭೆ

ಹದಿನಾಲ್ಕನೇ ವಿಧಾನಸಭೆ
(ನಾಲ್ಕನೇ ಅಧಿವೇಶನ)

## ಕಾರ್ಯಕಲಾಪಗಳ ಪಟ್ಟಿ

ಗುರುವಾರ, ದಿನಾಂಕ 26ನೇ ಜೂನ್, 2014
(ಸಮಯ: ಬೆಳಗ್ಗೆ 11.00 ಗಂಟೆಗೆ)

-----

### 1. ವಿತ್ತೀಯ ಕಾರ್ಯಕಲಾಪಗಳು

2014-15ನೇ ಸಾಲಿನ ಈ ಕೆಳಕಂಡ ಅನುದಾನ ಬೇಡಿಕೆಯ ಮೇಲೆ ನಡೆದ ಚರ್ಚೆಗೆ ಸರ್ಕಾರದ ಉತ್ತರ ಮತ್ತು ಮತಕ್ಕೆ ಹಾಕುವುದು.

| ಬೇಡಿಕೆ ಸಂಖ್ಯೆ | ಬೇಡಿಕೆಯ ಹೆಸರು |
|---|---|
| 01 | ಕೃಷಿ ಮತ್ತು ತೋಟಗಾರಿಕೆ |

### 2. ಪ್ರಶ್ನೋತ್ತರ

ಅ) ಸದನದಲ್ಲಿ ಉತ್ತರಿಸುವ ಪ್ರಶ್ನೆಗಳು : ನಾಲ್ಕನೇ ಪಟ್ಟಿ

ಆ) ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆಗಳು : ನಾಲ್ಕನೇ ಪಟ್ಟಿ

### 3. ವರದಿಯನ್ನೊಪ್ಪಿಸುವುದು

ಶ್ರೀ ಎನ್.ಹೆಚ್. ಶಿವಶಂಕರ ರೆಡ್ಡಿ (ಉಪ ಸಭಾಧ್ಯಕ್ಷರು ಹಾಗೂ ಅಧ್ಯಕ್ಷರು, ಖಾಸಗಿ ಸದಸ್ಯರುಗಳ ವಿಧೇಯಕ ಹಾಗೂ ನಿರ್ಣಯಗಳ ಸಮಿತಿ) ಅವರು 2013-14ನೇ ಸಾಲಿನ ಸಮಿತಿಯ ಐದನೇ ವರದಿಯನ್ನು ಒಪ್ಪಿಸುವುದು.

### 4. ನಿಯಮ 69ರ ಮೇರೆಗೆ ಸಾರ್ವಜನಿಕ ಮಹತ್ವದ ಜರೂರು ವಿಷಯದ ಬಗ್ಗೆ ಅಲ್ಪ ಕಾಲಾವಧಿ ಚರ್ಚೆ

ಶ್ರೀಯುತರುಗಳಾದ ಜಗದೀಶ್ ಶೆಟ್ಟರ, ಆರ್. ಅಶೋಕ್, ಬಸವರಾಜ ಬೊಮ್ಮಾಯಿ, ವಿಶ್ವೇಶ್ವರ ಹೆಗಡೆ ಕಾಗೇರಿ, ಎಸ್. ಸುರೇಶ್ ಕುಮಾರ್ ಹಾಗೂ ಇತರರು ರಾಜ್ಯದಲ್ಲಿ ಕಾನೂನು ಸುವ್ಯವಸ್ಥೆ ಕುಸಿದಿದ್ದು ಇಲಾಖೆಯಲ್ಲಿ ಅರಾಜಕತೆಯ ವಾತಾವರಣ ನಿರ್ಮಾಣವಾಗಿರುವ ಬಗ್ಗೆ ಚರ್ಚೆ ಹಾಗೂ ಸರ್ಕಾರದ ಉತ್ತರ.

*ಪು.ತಿ.ನೋ.,*

## 5. ವಿತ್ತೀಯ ಕಾರ್ಯಕಲಾಪಗಳು

2014-15ನೇ ಸಾಲಿನ ಈ ಕೆಳಕಂಡ ಅನುದಾನ ಬೇಡಿಕೆಯ ಮಂಡನೆ ಹಾಗೂ ಚರ್ಚೆ.

| **ಬೇಡಿಕೆ ಸಂಖ್ಯೆ** | **ಬೇಡಿಕೆಯ ಹೆಸರು** |
| --- | --- |
| 07 | ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ |

## 6. ಗಮನ ಸೆಳೆಯುವ ಸೂಚನೆಗಳು

1. ಶ್ರೀ ಕೆ.ಎನ್. ರಾಜಣ್ಣ ಅವರು ಪಡಿತರ ವಿತರಣೆಯಲ್ಲಿ ಸುಧಾರಣೆ ತರಲು ಕೈಗೊಂಡ ಕ್ರಮಗಳಲ್ಲಿ ಎಸ್.ಎಮ್.ಎಸ್. ವ್ಯವಸ್ಥೆ ಸಮರ್ಪಕವಾಗಿಲ್ಲದಿರುವುದರಿಂದ ಉಂಟಾಗಿರುವ ತೊಂದರೆಯ ಬಗ್ಗೆ ಮಾನ್ಯ ಆಹಾರ ಮತ್ತು ನಾಗರೀಕ ಸರಬರಾಜು ಸಚಿವರ ಗಮನ ಸೆಳೆಯುವುದು.

2. ಶ್ರೀ ಎಂ.ಸತೀಶ್ ರೆಡ್ಡಿ ಮತ್ತು ಶ್ರೀ ಎಸ್.ಆರ್. ವಿಶ್ವನಾಥ್ ಅವರುಗಳು ಬೆಂಗಳೂರು ದಕ್ಷಿಣ ವಲಯದ ವ್ಯಾಪ್ತಿಯಲ್ಲಿ ಹಲವು ಬಾರ್‌ಗಳು ಮತ್ತು ಮದ್ಯದಂಗಡಿಗಳು ಬೆಳಗ್ಗಿನಿಂದಲೇ ವಹಿವಾಟು ನಡೆಸುತ್ತಿರುವುದರಿಂದ ಸಾರ್ವಜನಿಕರಿಗೆ ತೊಂದರೆಯುಂಟಾಗಿರುವ ಬಗ್ಗೆ ಮಾನ್ಯ ಅಬಕಾರಿ ಸಚಿವರ ಗಮನ ಸೆಳೆಯುವುದು.

3. ಶ್ರೀ ಆರ್. ಜಗದೀಶ್ ಕುಮಾರ್ ಅವರು ಹೆಬ್ಬಾಳ ವಿಧಾನಸಭಾ ಕ್ಷೇತ್ರದ ಜೆ.ಸಿ. ನಗರದಲ್ಲಿರುವ ಸರ್ಕಾರಿ ಶಾಲೆಗಳು ಹಾಗೂ ಪದವಿ ಪೂರ್ವ ಕಾಲೇಜುಗಳು ಭಾರತೀಯ ಸೇನೆಗೆ ಸೇರಿರುವ ಸ್ಥಳದಲ್ಲಿರುವುದರಿಂದ, ಈ ಶಾಲಾ/ ಕಾಲೇಜುಗಳಿಗೆ ಮೂಲಭೂತ ಸೌಕರ್ಯ ಒದಗಿಸಲು ರಕ್ಷಣಾ ಇಲಾಖೆಯ ಅಧಿಕಾರಿಗಳು ಅಡ್ಡಿಪಡಿಸುತ್ತಿರುವ ಹಿನ್ನಲೆಯಲ್ಲಿ ಉಂಟಾಗಿರುವ ಸಮಸ್ಯೆಯ ಬಗ್ಗೆ ಮಾನ್ಯ ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಸಚಿವರ ಗಮನ ಸೆಳೆಯುವುದು.

4. ಶ್ರೀ ಹೆಚ್.ಕೆ. ಕುಮಾರಸ್ವಾಮಿ ಅವರು ಸಕಲೇಶಪುರ ಮತ್ತು ಆಲೂರು ಹಾಗೂ ಹಾಸನ ತಾಲ್ಲೂಕಿನ ಕೆಲ ಹಳ್ಳಿಗಳು ಹೇಮಾವತಿ ಜಲಾಶಯ ಯೋಜನೆಯ ಹಿನ್ನೀರಿನಿಂದ ಶೀತಪೀಡಿತಗೊಂಡಿರುವುದರಿಂದ ಆ ಹಳ್ಳಿಗಳನ್ನು ಸ್ಥಳಾಂತರಗೊಳಿಸುವ ಬಗ್ಗೆ ಮಾನ್ಯ ಭಾರೀ ಮತ್ತು ಮಧ್ಯಮ ನೀರಾವರಿ ಸಚಿವರ ಗಮನ ಸೆಳೆಯುವುದು.

***ಪು.ತಿ.ನೋ.,***

## 7. ಅರ್ಧ ಗಂಟೆ ಕಾಲಾವಧಿ ಚರ್ಚೆ

1. ಶ್ರೀ ಬೋಪಯ್ಯ ಕೆ.ಜಿ ಅವರು "ಸ್ವಾಧೀನದಲ್ಲಿರುವ ಜಮೀನನ್ನು ತೆರವುಗೊಳಿಸುವಂತೆ ಅರಣ್ಯ ಇಲಾಖೆಯಿಂದ ನೋಟಿಸ್ ಜಾರಿಗೊಳಿಸಿರುವ" ಬಗ್ಗೆ ದಿನಾಂಕ: 23.06.2014 ರಂದು ಸದನದಲ್ಲಿ ಉತ್ತರಿಸುವ ಪ್ರಶ್ನೆಗಳ ಮೊದಲನೇ ಪಟ್ಟಿಯಲ್ಲಿನ ಪ್ರಶ್ನೆ ಸಂಖ್ಯೆ: 9(04)ಕ್ಕೆ ಒದಗಿಸಿರುವ ಉತ್ತರಕ್ಕೆ ಸಂಬಂಧಿಸಿದಂತೆ ಅರ್ಧ ಗಂಟೆ ಕಾಲ ಚರ್ಚಿಸುವುದು.

2. ಶ್ರೀ ಹ್ಯಾರಿಸ್ ಎನ್.ಎ ಅವರು "ಬೃಹತ್ ಬೆಂಗಳೂರು ಮಹಾನಗರ ಪಾಲಿಕೆ ವ್ಯಾಪ್ತಿಯಲ್ಲಿನ ಸುವ್ಯವಸ್ಥಿತ ಶಾಶ್ವತ ಕಸ ವಿಲೇವಾರಿ" ಬಗ್ಗೆ ದಿನಾಂಕ 24.06.2014ರಂದು ಸದನದಲ್ಲಿ ಉತ್ತರಿಸುವ ಪ್ರಶ್ನೆಗಳ ಎರಡನೇ ಪಟ್ಟಿಯಲ್ಲಿನ ಪ್ರಶ್ನೆ ಸಂಖ್ಯೆ: 18(256)ಕ್ಕೆ ಒದಗಿಸಿರುವ ಉತ್ತರಕ್ಕೆ ಸಂಬಂಧಿಸಿದಂತೆ ಅರ್ಧ ಗಂಟೆ ಕಾಲ ಚರ್ಚಿಸುವುದು.

## 8. ಖಾಸಗಿ ಸದಸ್ಯರ ಕಾರ್ಯಕಲಾಪಗಳು

*ಶ್ರೀ ಕೆ.ಗೋಪಾಲಯ್ಯ , ಅವರು ಕೆಳಕಂಡ ನಿರ್ಣಯವನ್ನು ಮಂಡಿಸುವುದು.*

"ಪ್ರಾಚೀನ ವೈದ್ಯಕೀಯ ಶಾಸ್ತ್ರವಾದ ಆಯುರ್ವೇದದಲ್ಲಿ ಹೆಚ್ಚಿನ ಸಂಶೋಧನೆ ಹಾಗೂ ರಾಜ್ಯದಲ್ಲಿರತಕ್ಕ ಆಯುರ್ವೇದ ಕಾಲೇಜುಗಳ ಅಭಿವೃದ್ಧಿಗಾಗಿ ಬೆಂಗಳೂರಿನಲ್ಲಿ ಆಯುರ್ವೇದ ವಿಶ್ವವಿದ್ಯಾಲಯವನ್ನು ಸ್ಥಾಪಿಸಲು ಕೇಂದ್ರದೊಡನೆ ವ್ಯವಹರಿಸಿ ಅಗತ್ಯ ಕ್ರಮ ಕೈಗೊಳ್ಳುವ" ಬಗ್ಗೆ ಸದನವು ಸರ್ಕಾರವನ್ನು ಒತ್ತಾಯಿಸುತ್ತದೆ."

**ಪಿ.ಓಂಪ್ರಕಾಶ**
ಕಾರ್ಯದರ್ಶಿ

Raj N

ವಿಧಾನಸಭೆಯ ಕಾರ್ಯಕಲಾಪಗಳ ಪಟ್ಟಿಯನ್ನು ವೆಬ್‌ಸೈಟ್‌ನಲ್ಲಿಯೂ ಸಹ ಪಡೆದುಕೊಳ್ಳಬಹುದು.
(www.kar.nic.in/kla)